

# ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 12-03-2021 ಪ್ರಶ್ನೆ ಸಂಖ್ಯೆ : 861 (1121)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 12-03-2021

ಉತ್ತರಿಸುವ ಸಚಿವರು : ಕೃಷಿ ಸಚಿವರು

ವಿಷಯ : "ಕೃಷಿ ಅರಣ್ಯ ಪ್ರೋತ್ಸಾಹಧನ" ಯೋಜನೆ ಕುರಿತು

(ಅ) ಸರ್ಕಾರದ ಮಹತ್ವಾಕಾಂಕ್ಷಿ "ಕೃಷಿ ಅರಣ್ಯ ಪ್ರೋತ್ಸಾಹಧನ" ಯೋಜನೆ ಸಮರ್ಪಕವಾಗಿ ಜಾರಿಯಾಗುತ್ತಿಲ್ಲವೆಂದು ವರದಿಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಕಳೆದ ಎರಡು ವರ್ಷಗಳ ಅವಧಿಯಲ್ಲಿ ರಾಜ್ಯದಲ್ಲಿ ಈ ಯೋಜನೆಗಳ ಫಲಾನುಭವಿಗಳ ಸಂಖ್ಯೆ ಎಷ್ಟು ;

(ಇ) ಕಳೆದ ಎರಡು ವರ್ಷಗಳ ಅವಧಿಯಲ್ಲಿ ಸದರಿ ಯೋಜನೆಯಡಿಯಲ್ಲಿ ನೀಡಲಾದ ಪ್ರೋತ್ಸಾಹಧನದ ಮೊತ್ತವೆಷ್ಟು ಹಾಗೂ ನೀಡಲು ಬಾಕಿ ಇರುವ ಮೊತ್ತವೆಷ್ಟು ;

(ಈ) ಕಳೆದ ಎರಡು ವರ್ಷಗಳಲ್ಲಿ ಬೆಳಗಾವಿ ಜಿಲ್ಲೆಯಲ್ಲಿ ಕೃಷಿ ಅರಣ್ಯ ಯೋಜನೆಯಡಿ ಪ್ರಯೋಜನ ಪಡೆದ ಫಲಾನುಭವಿಗಳ ಸಂಖ್ಯೆ ಎಷ್ಟು ?